ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ಪ್ರಧಾನ ಮಂತ್ರಿ ಸುರಕ್ಷಿತ ಮಾತೃತ್ವ ಅಭಿಯಾನದ ಕುರಿತು

ಶ್ರೀ ಎನ್. ರವಿಕುಮಾರ್ (ವಿಧಾನಸಭೆಯಿಂದ ಚುನಾಯಿತರಾದವರು):-

502(376) ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಕಳೆದ ಒಂದು ವರ್ಷದಲ್ಲಿ ಪ್ರಧಾನ ಮಂತ್ರಿ ಸುರಕ್ಷಿತ ಮಾತೃತ್ವ ಅಭಿಯಾನದಡಿಯಲ್ಲಿ ಎಷ್ಟು ಗರ್ಭಿಣಿ ಮಹಿಳೆಯರನ್ನು ಪ್ರಸವ ಪೂರ್ವ ಆರೋಗ್ಯ ತಪಾಸಣೆಗೆ ಒಳಪಡಿಸಲಾಗಿದೆ; ಇದರಿಂದ ಎಷ್ಟು ತೀವ್ರ ತಾಪತ್ರಯದ ಗರ್ಭಿಣಿಯರನ್ನು ಗುರುತಿಸಲಾಗಿದೆ ;

(ಆ) ಕಳೆದ ಒಂದು ವರ್ಷದಲ್ಲಿ ಪ್ರಧಾನ ಮಂತ್ರಿ ಮಾತೃವಂದನಾ ಯೋಜನೆಯ ಮೂಲಕ ಎಷ್ಟು ಗರ್ಭಿಣಿ ತಾಯಂದರಿಗೆ ಉತ್ತೇಜಕ ಧನ ಸಹಾಯ ನೀಡಲಾಗಿದೆ ; (ಜಿಲ್ಲಾವಾರು ಮಾಹಿತಿ ನೀಡುವುದು)

(ಇ) ಇದರಲ್ಲಿ ರಾಜ್ಯ ಸರ್ಕಾರವು ನೀಡಿದ ಅನುದಾನವೆಷ್ಟು ;

(ಈ) ಇಂದ್ರಧನುಷ್ ಮಿಷನ್ ಮೂಲಕ ಕಾಯಿಲೆಯಿಂದ ರಕ್ಷಣೆ ಪಡೆಯಲು ಕಳೆದ ಒಂದು ವರ್ಷದಲ್ಲಿ ರಾಜ್ಯದ ಎಷ್ಟು ಗರ್ಭಿಣಿ ಸ್ತ್ರೀಯರಿಗೆ ಮತ್ತು ಮಕ್ಕಳಿಗೆ ಲಸಿಕೆಯನ್ನು ನೀಡಲಾಗಿದೆ? (ಜಿಲ್ಲಾವಾರು ಮಾಹಿತಿ ನೀಡುವುದು)